ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**
ನೂರ ನಲವತ್ತೆರಡನೆಯ ಅಧಿವೇಶನ
ಬುಧವಾರ, ದಿನಾಂಕ: 09ನೇ ಡಿಸೆಂಬರ್, 2020

ರಾಜ್ಯ ಹೆದ್ದಾರಿಯ ರಸ್ತೆ ಕಾಮಗಾರಿ ಪೂರ್ಣಗೊಳಿಸುವ ಬಗ್ಗೆ

ಶ್ರೀ ಎನ್. ಅಪ್ಪಾಜಿಗೌಡ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

164 (303) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಲೋಕೋಪಯೋಗಿ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) 2018-19ನೇ ಸಾಲಿನಲ್ಲಿ ಲೋಕೋಪಯೋಗಿ ಇಲಾಖೆಯ ವತಿಯಿಂದ ಲೆಕ್ಕ ಶೀರ್ಷಿಕೆ:5054-04-337-0-01 -154ರಡಿ ನಾಗಮಂಗಲ ತಾಲ್ಲೂಕಿನ ಕಾಂತಾಪುರ ಮಾರ್ಗ ರಾಜ್ಯ ಹೆದ್ದಾರಿ 19 (ಎನ್.ಹೆಚ್-150ಎ) ಅನ್ನು ಹೊಣಕೆರೆ ಬಳಿ ಸೇರುವ ಜಿಲ್ಲಾ ಮುಖ್ಯ ರಸ್ತೆ ಮತ್ತು ನಾಗಮಂಗಲ ತಾಲ್ಲೂಕು ದೇವಲಾಪುರ ಮಾರ್ಕೋನಹಳ್ಳಿ ಸೇರುವ ಜಿಲಾ ಮುಖ್ಯ ರಸ್ತೆಯ ರಾಜ್ಯ ಹೆದ್ದಾರಿ ರಸ್ತೆಯ ಅಭಿವೃದ್ಧಿಪಡಿಸುವ ಕಾಮಗಾರಿಯನ್ನು ರೂ.750.00 ಲಕ್ಷಗಳಿಗೆ ಮಂಜೂರಾಗಿ ಪ್ರಸ್ತುತ ಕಾಮಗಾರಿ ಪೂರ್ಣಗೊಳಿಸಬೇಕಾದ ಸಮಯ ಮುಗಿದರೂ ಇನ್ನೂ ಕಾಮಗಾರಿ ಪೂರ್ಣಗೊಳ್ಳದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಸದರಿ ಕಾಮಗಾರಿ ಕಳಪೆ ಗುಣಮಟ್ಟದಿಂದ ಕೂಡಿದ್ದು ಅಂದಾಜು ಪಟ್ಟಿಯಲ್ಲಿರುವಂತೆ ಕಾಮಗಾರಿ ಪೂರೈಸದೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಗುಣಮಟ್ಟ ಪರಿಶೀಲಿಸಲು ಸರ್ಕಾರ ಕೈಗೊಂಡ ಕ್ರಮಗಳೇನು ; (ವಿವರ ನೀಡುವುದು)

(ಇ) ಕಾಮಗಾರಿ ವಿಳಂಬದಿಂದ ಸುತ್ತಮುತ್ತಲಿನ ಸಾರ್ವಜನಿಕರಿಗೆ ದಿನನಿತ್ಯ ತಾಲ್ಲೂಕು ಕೇಂದ್ರಕ್ಕೆ ಓಡಾಡಲು ತುಂಬಾ ತೊಂದರೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ತುರ್ತಾಗಿ ಕಾಮಗಾರಿಯನ್ನು ಗುಣಮಟ್ಟದಿಂದ ಯಾವ ಕಾಲಮಿತಿಯೊಳಗೆ ಪೂರ್ಣಗೊಳಿಸಲಾಗುವುದು ; (ವಿವರ ನೀಡುವುದು)

(ಈ) ಸಂಬಂಧಪಟ್ಟ ಗುತ್ತಿಗೆದಾರರು, ಮತ್ತು ಇಲಾಖಾ ಅಧಿಕಾರಿಗಳ ವಿರುದ್ಧ ಕೈಗೊಳ್ಳಲಾದ ಶಿಸ್ತು ಕ್ರಮಗಳೇನು ? (ವಿವರ ನೀಡುವುದು)